# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 348
ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)
ಉತ್ತರಿಸುವ ದಿನಾಂಕ : 06-03-2020
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ. | ಪ್ರಶ್ನೆಗಳು | ಉತ್ತರಗಳು |
|---|---|---|
| ಅ | ರಾಜ್ಯದ ಗ್ರಾಮ ಪಂಚಾಯಿತಿಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳ ಹುದ್ದೆಯನ್ನು ಗ್ರೂಪ್ 'ಬಿ' ಹುದ್ದೆಯನ್ನಾಗಿ ಮೇಲ್ದರ್ಜೆಗೇರಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; | ಹೌದು. |
| ಆ | ಈ ಪ್ರಸ್ತಾವನೆಯನ್ನು 6ನೇ ವೇತನ ಆಯೋಗದ ಮುಂದೆ ತಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| ಇ | 6ನೇ ವೇತನ ಆಯೋಗವು ತನ್ನ 2ನೇ ವರದಿ ನೀಡಿದ್ದು, ಈ ಬಗ್ಗೆ ತಿಳಿಸಿರುವ ಅಭಿಪ್ರಾಯವೇನು; | ಆರ್ಥಿಕ ಇಲಾಖೆಯ ಅಭಿಪ್ರಾಯದ ಮೇರೆಗೆ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಯನ್ನು ಗ್ರೂಪ್ ಬಿ ಹುದ್ದೆಗೆ ಮೇಲ್ದರ್ಜೇಗೇರಿಸುವ ಪ್ರಸ್ತಾವನೆಯನ್ನು 6ನೇ ಕರ್ನಾಟಕ ರಾಜ್ಯ ವೇತನ ಆಯೋಗದ ಮುಂದೆ ಮಂಡಿಸಲಾಗಿತ್ತು. 6ನೇ ರಾಜ್ಯ ವೇತನ ಆಯೋಗವು ತನ್ನ ವರದಿಯ 2ನೇ ಸಂಪುಟದಲ್ಲಿ ಆರ್ಥಿಕ ಇಲಾಖೆಗೆ ಸಲ್ಲಿಸಿದ್ದು, ಗ್ರಾಮ ಪಂಚಾಯತಿಗಳ ಮೇಲ್ದರ್ಜೇಗೇರಿಸುವಿಕೆ ವಿಷಯವು ಸರ್ಕಾರದ ಹಂತದಲ್ಲಿ ಅದರ ಕಾರ್ಯನಿರ್ವಹಣೆಯ ಅಗತ್ಯತೆಗಳನ್ನು ಮತ್ತು ಇತರೆ ತತ್ಸಬಂಧ ಅಂಶಗಳನ್ನು ತೀರ್ಮಾನಿಸಬೇಕಾಗುತ್ತದೆ ಎಂದು ತಿಳಿಸಿರುತ್ತದೆ. |
| ಈ | ಪಿ.ಡಿ.ಓ. ಹುದ್ದೆಯ್ನು 'ಬಿ' ವೃಂದಕ್ಕೇರಿಸಲು ಸರ್ಕಾರದ ಒಟ್ಟಾರೆ ನಿಲುವೇನು? | ರಾಜ್ಯದ ಗ್ರಾಮ ಪಂಚಾಯತ್‌ಗಳ ಪಂಚಾಯತ್ ಅಭಿವೃದ್ಧಿ ಅಧಿಕಾರಿ ಹುದ್ದೆಯನ್ನು ಗ್ರೂಪ್ ಬಿ ಹುದ್ದೆಯನ್ನಾಗಿ ಮೇಲ್ದರ್ಜೇಗೇರಿಸುವ ಬಗ್ಗೆ ಆರ್ಥಿಕ ಇಲಾಖೆಯೊಂದಿಗೆ ಸಮಾಲೋಚಿಸಿ ಕ್ರಮ ಕೈಗೊಳ್ಳಲಾಗುವುದು. |

ಸಂ. ಗ್ರಾಅಪ 232 ಗ್ರಾಪಂಅ 2020

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.